ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತಮೂರನೆಯ ಅಧಿವೇಶನ
ಬುಧವಾರ, ದಿನಾಂಕ : 03 ನೇ ಫೆಬ್ರುವರಿ, 2021

ಉತ್ತರ ಕರ್ನಾಟಕ ಭಾಗದಲ್ಲಿ ಮೀನುಗಾರಿಕೆಗೆ ಪ್ರೋತ್ಸಾಹ ಕುರಿತು

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

265 (362) ಮಾನ್ಯ ಮೀನುಗಾರಿಕೆ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಉತ್ತರ ಕರ್ನಾಟಕದ ಭಾಗದಲ್ಲಿ ಮೀನು ಸಾಗಾಣಿಕೆ ಮತ್ತು ಸಂಸ್ಕರಣೆಗಳಿಗೆ ಸಾಕಷ್ಟು ಅನುಕೂಲಕರವಾದ ವಾತಾವರಣ ಹಾಗೂ ಜಲಸಂಪನ್ಮೂಲವಿದ್ದರೂ ಅದರ ಅಭಿವೃದ್ಧಿಗೆ ಸರ್ಕಾರ ಗಮನಹರಿಸದಿರಲು ಕಾರಣವೇನು ;

(ಆ) ಕರ್ನಾಟಕ ಮತ್ಸ್ಯ ವಿಕಾಸ ಯೋಜನೆಯಡಿಯಲ್ಲಿ ಮೀನುಗಾರಿಕಾ ತಾಂತ್ರಿಕತೆಯನ್ನು ಪ್ರೋತ್ಸಾಹಿಸಲು ಸರ್ಕಾರ ಯೋಜನೆ ಹಾಕಿಕೊಂಡಿದೆಯೇ;

(ಇ) ಹಾಗಿದ್ದಲ್ಲಿ, ಈ ಯೋಜನೆಯಡಿಯಲ್ಲಿ ಉತ್ತರ ಕರ್ನಾಟಕದ ಭಾಗದಲ್ಲಿ ಯಾವ ಯಾವ ಸ್ಥಳಗಳಲ್ಲಿ ಜಾರಿಗೆ ತರಲು ಯೋಚಿಸಲಾಗಿದೆ ;

(ಈ) ಈ ಯೋಜನೆಯ ಅನುಷ್ಠಾನಕ್ಕಾಗಿ ಮೀಸಲಿಟ್ಟ ಹಣವೆಷ್ಟು ?